ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಮಂಗಳವಾರ, ದಿನಾಂಕ: 22ನೇ ಸೆಪ್ಟಂಬರ್, 2020

ಆಹಾರ ಇಲಾಖೆಯಿಂದ ಫುಡ್‌ಕಿಟ್ ವಿತರಣೆ ಕುರಿತು

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

150 (268) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮಂಡ್ಯ ಜಿಲ್ಲೆಯಲ್ಲಿ ಕೋವಿಡ್-19ರ ಲಾಕ್‌ಡೌನ್ ಅವಧಿಯಲ್ಲಿ ಬಡವರಿಗೆ, ನಿರ್ಗತಿಕರಿಗೆ ಫುಡ್‌ಕಿಟ್ ನೀಡಲಾಗಿದೆಯೇ ; ನೀಡಿದ್ದಲ್ಲಿ, ಎಷ್ಟು ಫುಡ್‌ಕಿಟ್‌ಗಳನ್ನು ವಿತರಣೆ ಮಾಡಲಾಗಿದೆ ;

(ಆ) ಕೋವಿಡ್-19ರ ಲಾಕ್‌ಡೌನ್ ಅವಧಿಯಲ್ಲಿ ಬಡವರ ಹಸಿವು ನೀಗಿಸಲು ಇಲಾಖೆ ವತಿಯಿಂದ ತೆಗೆದುಕೊಂಡ ಮುಂಜಾಗ್ರತಾ ಕ್ರಮಗಳೇನು;

(ಇ) ಕೋವಿಡ್-19ರ ಲಾಕ್‌ಡೌನ್ ಅವಧಿಯಲ್ಲಿ ಸಾರ್ವಜನಿಕರು ಕೆಲಸ ಕಳೆದುಕೊಂಡು ಕೆಲಸ ಸಿಗದೆ ಪರದಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಈ ಜನರಿಗೆ ಉದ್ಯೋಗವಕಾಶಗಳನ್ನು ಕಲ್ಪಿಸಲು ಸರ್ಕಾರ ಯಾವ ರೀತಿಯ ಕ್ರಮಗಳನ್ನು ಕೈಗೊಳ್ಳಲಾಗುವುದು ? (ಸ್ಪಷ್ಟ ಉತ್ತರ ನೀಡುವುದು)